# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ : 34
ಸದಸ್ಯರ ಹೆಸರು : ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನ ಸಭೆಯಿಂದ ಚುನಾಯಿತರಾದವರು)
ಉತ್ತರಿಸುವ ದಿನಾಂಕ : 29-01-2021.
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಕೊಡಗು ಜಿಲ್ಲೆಯಲ್ಲಿ ಒಟ್ಟು ಎಷ್ಟು ಗ್ರಾಮ ಪಂಚಾಯಿತಿಗಳಿವೆ; ಜಿಲ್ಲೆಗೆ ಮಂಜೂರಾಗಿರುವ ಹಾಗೂ ಪ್ರಸ್ತುತ ಕಾರ್ಯನಿರ್ವಹಿಸುತ್ತಿರುವ ಹಾಗೂ ಖಾಲಿ ಇರುವ ಪಂಚಾಯಿತಿ ಅಭಿವೃದ್ಧಿ ಅಧಿಕಾರಿಗಳ ಹುದ್ದೆಗಳ ಸಂಖ್ಯೆ ಎಷ್ಟು; | ಕೊಡಗು ಜಿಲ್ಲೆಯಲ್ಲಿ ಒಟ್ಟು 104 ಗ್ರಾಮ ಪಂಚಾಯತಿಗಳಿವೆ.<br>ಕೊಡಗು ಜಿಲ್ಲೆಗೆ ಒಟ್ಟು 104 ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳು ಮಂಜೂರಾಗಿದ್ದು, 71 ಪಂಚಾಯತಿ ಅಭಿವೃದ್ಧಿ ಅಧಿಕಾರಿಗಳು ಕರ್ತವ್ಯ ನಿರ್ವಹಿಸುತ್ತಿದ್ದು, 33 ಹುದ್ದೆಗಳು ಖಾಲಿ ಇರುತ್ತವೆ. |
| (ಆ) | ಜಿಲ್ಲೆಯಲ್ಲಿ ಹಲವಾರು ಪಂಚಾಯಿತಿ ಅಭಿವೃದ್ಧಿ ಅಧಿಕಾರಿಗಳಿಗೆ ಹೆಚ್ಚುವರಿ ಪ್ರಭಾರದ ಜವಾಬ್ದಾರಿ ಇರುವುದರಿಂದ ಗ್ರಾಮ ಪಂಚಾಯಿತಿಗಳ ಪ್ರಗತಿ ಕುಂಠಿತವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿಲ್ಲ.<br>ಗ್ರಾಮ ಪಂಚಾಯತಿಯ ದಿನನಿತ್ಯದ ಕಾರ್ಯಚಟುವಟಿಕೆಗಳು, ಕೇಂದ್ರ ಮತ್ತು ರಾಜ್ಯ ಸರ್ಕಾರದ ಯೋಜನೆ / ಕಾರ್ಯಕ್ರಮಗಳನ್ನು ಅನುಷ್ಠಾನಗೊಳಿಸಲು ಗ್ರಾಮ ಪಂಚಾಯಿತಿಗಳಲ್ಲಿ ಖಾಲಿ ಇರುವ ಹುದ್ದೆಗಳಿಗೆ ಹಾಲಿ ಗ್ರಾಮ ಪಂಚಾಯತಿಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಪಂಚಾಯತಿ ಅಭಿವೃದ್ಧಿ ಅಧಿಕಾರಿ / ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-I ವೃಂದದ ನೌಕರರನ್ನು ಹೆಚ್ಚುವರಿ ಪ್ರಭಾರದಲ್ಲಿರಿಸಲು ಕ್ರಮ ವಹಿಸಲಾಗಿದೆ. |
| (ಇ) | ಬಂದಿದ್ದಲ್ಲಿ, ಜಿಲ್ಲೆಯಲ್ಲಿ ಖಾಲಿ ಇರುವ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳನ್ನು ಯಾವ ಕಾಲಮಿತಿಯೊಳಗೆ ತುಂಬಲಾಗುವುದು? | ಪಂಚಾಯತಿ ಅಭಿವೃದ್ಧಿ ಅಧಿಕಾರಿ ವೃಂದಕ್ಕೆ ಜಿಲ್ಲಾ ಪಂಚಾಯತಿಗಳ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿ ನೇಮಕಾತಿ ಪ್ರಾಧಿಕಾರ ಆಗಿದ್ದು ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-I ವೃಂದದ ಅರ್ಹ ನೌಕರರು ಲಭ್ಯವಾದಂತೆ ಜೇಷ್ಠತೆ ಮತ್ತು ಅರ್ಹತೆ ಆಧಾರದ ಮೇಲೆ ಮುಂಬಡ್ತಿ ಮೂಲಕ ಭರ್ತಿ ಮಾಡಲು ಸರ್ಕಾರದಿಂದ ಎಲ್ಲಾ ಜಿಲ್ಲಾ ಪಂಚಾಯತಿಗಳ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿಗಳಿಗೆ ನಿರ್ದೇಶನ ನೀಡಲಾಗಿದೆ. |

ಸಂ. ಗ್ರಾಅಪ 35 ಗ್ರಾಪಂಅ 2021

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.
ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು